


# ಕರ್ನಾಟಕ ವಿಧಾನ ಪರಿಷತ್ತು

## ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

## ಚುಕ್ಕೆ ರಹಿತ ಪ್ರಶ್ನೆ

ದಿನಾಂಕ : 22-03-2021 ಪ್ರಶ್ನೆ ಸಂಖ್ಯೆ : 1543 (1870)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

ಉತ್ತರ ನೀಡಬೇಕಾದ ದಿನಾಂಕ : 22-03-2021

ಉತ್ತರಿಸುವ ಸಚಿವರು : ಅರಣ್ಯ ಹಾಗೂ ಕನ್ನಡ ಮತ್ತು ಸಂಸ್ಕೃತಿ ಸಚಿವರು

ವಿಷಯ : ಖಾನಾಪುರ ತಾಲ್ಲೂಕಿನ ಹುಲಿ ಸಂರಕ್ಷಣೆ ಅಭಯಾರಣ್ಯ ವ್ಯಾಪ್ತಿಯ ಹಳ್ಳಿಗಳ ಮೂಲಸೌಲಭ್ಯ ಬಗ್ಗೆ

(ಅ) ಬೆಳಗಾವಿ ಜಿಲ್ಲೆ, ಖಾನಾಪುರ ತಾಲ್ಲೂಕಿನ ಪಶ್ಚಿಮಘಟ್ಟ ಪ್ರದೇಶದಲ್ಲಿನ ಹುಲಿ ಸಂರಕ್ಷಣೆ ಅಭಯಾರಣ್ಯ ವ್ಯಾಪ್ತಿಯ ಹಳ್ಳಿಗಳು ಮೂಲ ಸೌಕರ್ಯಗಳ ಕೊರತೆಯಿಂದ ವಂಚಿತರಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಹಾಗಿದ್ದಲ್ಲಿ, ಸದರಿ ಪಶ್ಚಿಮಘಟ್ಟ ಪ್ರದೇಶದಲ್ಲಿನ ಗ್ರಾಮಗಳಲ್ಲಿ ಮೂಲ ಸೌಕರ್ಯಗಳನ್ನು ಕಲ್ಪಿಸಲು ಅನುಕೂಲವಾಗುವಂತೆ ತೆಗೆದುಕೊಂಡ ಕ್ರಮಗಳೇನು;

(ಇ) ಹುಲಿ ಅಭಯಾರಣ್ಯ ವ್ಯಾಪ್ತಿಯಲ್ಲಿ ಬರುವ ಖಾನಾಪುರ ತಾಲ್ಲೂಕಿನ ಪ್ರದೇಶಗಳು ಎಷ್ಟು;

(ಈ) ಈ ಅಭಯಾರಣ್ಯ ಪ್ರದೇಶದಲ್ಲಿ ಒಟ್ಟು ಎಷ್ಟು ಗ್ರಾಮಗಳು ಹಾಗೂ ಎಷ್ಟು ಸಣ್ಣ ಪುಟ್ಟ ಹಳ್ಳಿಗಳು ಬರುತ್ತವೆ; ಅವು ಯಾವುವು;

(ಉ) ಸದರಿ ಅಭಯಾರಣ್ಯ ಪ್ರದೇಶ ವ್ಯಾಪ್ತಿಯ ಹಳ್ಳಿಗಳಲ್ಲಿ ಮೂಲ ಸೌಕರ್ಯಗಳ ಕಾಮಗಾರಿ ಕೈಗೊಳ್ಳಲು ಮತ್ತು ರಸ್ತೆ ಕಾಮಗಾರಿಗಳಿಗೆ ಅರಣ್ಯ ಇಲಾಖೆಯಿಂದ ಅಡಚಣೆಯಾಗದಂತೆ ಸಹಕರಿಸಲು ಏನೇನು ಕ್ರಮಗಳನ್ನು ಕೈಗೊಳ್ಳಲಾಗಿದೆ? (ವಿವರ ಒದಗಿಸುವುದು)